ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಶುಕ್ರವಾರ, ದಿನಾಂಕ : 20 ನೇ ಮಾರ್ಚ್, 2020

ರಾಜ್ಯದ ಪ್ರವಾಸಿ ತಾಣಗಳ ಸಮಸ್ಯೆಗಳ ಬಗ್ಗೆ

ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ(ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

1400 (1658) ಮಾನ್ಯ ಪ್ರವಾಸೋದ್ಯಮ, ಕನ್ನಡ ಮತ್ತು ಸಂಸ್ಕೃತಿ ಹಾಗೂ ಯುವ ಸಬಲೀಕರಣ ಮತ್ತು ಕ್ರೀಡಾ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯದಲ್ಲಿ ಪ್ರವಾಸೋದ್ಯಮದ ಅಭಿವೃದ್ಧಿಗೆ ಸಾಕಷ್ಟು ಅವಕಾಶಗಳಿದ್ದು, ಅದರ ಸದ್ಭಳಕೆ ಇಲ್ಲದೇ ಯಾತ್ರಾರ್ಥಿಗಳು ಹಲವಾರು ಸಮಸ್ಯೆಗಳನ್ನೆದುರಿಸುತ್ತಿದ್ದು. ರಾಜ್ಯದ ಬೊಕ್ಕಸಕ್ಕೂ ಉತ್ಪನ್ನ ಬರದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಉತ್ತರ ಕರ್ನಾಟಕದ ಬಹು ಮುಖ್ಯ ಪ್ರವಾಸೀ ತಾಣಗಳಾದ ವಿಜಯಪುರದಲ್ಲಿರುವ ಗೋಲ್‌ಗುಂಬಜ್‌ದಂತಹ ಅದ್ಭುತವಾದ ಪ್ರೇಕ್ಷಣೀಯ ಸ್ಥಳಕ್ಕೆ ಹೊರದೇಶದಿಂದ ಬಂದ ಪ್ರವಾಸಿಗರಿಗೆ ಬೆಂಗಳೂರಿನಿಂದ ಪ್ರಯಾಣ ಬೆಳೆಸಲು ಹಾಗೂ ಉಳಿದುಕೊಳ್ಳಲು ಒಳ್ಳೆಯ ವಸತಿ ಗೃಹಗಳ ಅನಾನುಕೂಲತೆ ಇರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಇ) ಬೆಳಗಾವಿ ಜಿಲ್ಲೆಯ ಸವದತ್ತಿ ತಾಲ್ಲೂಕಿನ ಶ್ರೀ ರೇಣುಕಾ ಯಲ್ಲಮ್ಮ ದೇವಾಲಯಕ್ಕೆ ಅಸಂಖ್ಯಾತ ಪ್ರವಾಸಿಗರು ಬರುತ್ತಿದ್ದು, ಮೂಲಭೂತ ಸೌಕರ್ಯಗಳ ಹಾಗೂ ಶುಚಿತ್ವದ ಕೊರತೆಯಿಂದ ಜನಸಾಮಾನ್ಯರು ತೊಂದರೆಗೊಳಗಾಗುತ್ತಿದ್ದು, ಇದರ ಸುಧಾರಣೆಗೆ ಸರ್ಕಾರ ತೆಗೆದುಕೊಂಡ ಕ್ರಮವೇನು;

(ಈ) ಬಾಗಲಕೋಟೆ ಜಿಲ್ಲೆಯ ಬಾದಾಮಿ, ಬನಶಂಕರಿ, ಐಹೊಳೆ, ಪಟ್ಟದ ಕಲ್ಲುಗಳಂತಹ ಜಗತ್ಪ್ರಸಿದ್ಧ ಪ್ರವಾಸೀ ತಾಣಗಳಿಗೆ ಹೋಗಿ ಬರಲು ಹಾಗೂ ಉಳಿದುಕೊಳ್ಳಲು ಒಳ್ಳೆ ಸಾರಿಗೆ ಹಾಗೂ ವಾಸ್ತವ್ಯಕ್ಕೆ ಕೊರತೆ ಇರುವುದರಿಂದ ನಿರೀಕ್ಷಿತ ಮಟ್ಟದಲ್ಲಿ ಅಭಿವೃದ್ಧಿಯಾಗದೇ ಸರ್ಕಾರಕ್ಕೆ ಆದಾಯವೂ ಕಡಿಮೆಯಾಗಿದ್ದು. ಇದರ ಸುಧಾರಣೆಗೆ ಸರ್ಕಾರ ಯಾವ ಕ್ರಮ ಕೈಗೊಂಡಿದೆ ?